ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಅಲ್ಪಸಂಖ್ಯಾತರ ಜನರು ವಾಸಿಸುವ ಪ್ರದೇಶಗಳ ಅಭಿವೃದ್ಧಿಗಾಗಿ ರೂಪಿಸಿರುವ ಯೋಜನೆಗಳ ಕುರಿತು

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

411(542) ಮಾನ್ಯ ಕೈಮಗ್ಗ ಮತ್ತು ಜವಳಿ ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಅಲ್ಪಸಂಖ್ಯಾತ ಜನರು ವಾಸಿಸುವ ಪ್ರದೇಶಗಳಲ್ಲಿ ಯಾವ ಯಾವ ಯೋಜನೆಗಳನ್ನು ಅನುಷ್ಠಾನಗೊಳಿಸಬಹುದು ಮತ್ತು ಯೋಜನೆಗಳ ಅನುಷ್ಠಾನಕ್ಕಿರುವ ಮಾನದಂಡಗಳೇನು; ಈ ಯೋಜನೆಗಳಲ್ಲಿ ಯಾವ ಯಾವ ಕಾಮಗಾರಿಗಳನ್ನು ಮಾಡಬಹುದು; ಸದರಿ ಯೋಜನೆಗಳಲ್ಲಿ ಕಾಮಗಾರಿಗಳನ್ನು ಅನುಷ್ಠಾನ ಮಾಡಲು ಇರುವ ಸರ್ಕಾರಿ ಸುತ್ತೋಲೆ/ಆದೇಶಗಳ ಪ್ರತಿಗಳನ್ನು ನೀಡುವುದು;

(ಆ) ಮಂಡ್ಯ ಜಿಲ್ಲಾ ವ್ಯಾಪ್ತಿಯಲ್ಲಿ ಇಲಾಖೆ ವತಿಯಿಂದ ಅಲ್ಪಸಂಖ್ಯಾತ ಜನರು ವಾಸಿಸುವ ಪ್ರದೇಶಗಳಲ್ಲಿ ಅಗತ್ಯ ಮೂಲಭೂತ ಸೌಲಭ್ಯಗಳನ್ನು ಒದಗಿಸಲು ಯಾವ ಯೋಜನೆಗಳನ್ನು ರೂಪಿಸಲಾಗಿದೆ; (ತಾಲ್ಲೂಕುವಾರು ಸಂಪೂರ್ಣ ವಿವರ ನೀಡುವುದು)

(ಇ) ಕಳೆದ ಮೂರು ವರ್ಷಗಳಿಂದ ಮಂಡ್ಯ ಜಿಲ್ಲಾ ವ್ಯಾಪ್ತಿಯಲ್ಲಿ ಅಲ್ಪಸಂಖ್ಯಾತ ಜನರು ವಾಸಿಸುವ ಪ್ರದೇಶಗಳಲ್ಲಿ ಸರ್ಕಾರ ಯಾವ ಯಾವ ಕಾಮಗಾರಿಗಳನ್ನು ಕೈಗೊಳ್ಳಲಾಗಿದೆ? (ಸಂಪೂರ್ಣ ವಿವರ ನೀಡುವುದು)